ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಶುಕ್ರವಾರ, ದಿನಾಂಕ : 20 ನೇ ಮಾರ್ಚ್, 2020

ಅಲ್ಪಸಂಖ್ಯಾತರ ಉನ್ನತಿಗಾಗಿ ಯೋಜನೆ ರೂಪಿಸುವ ಕುರಿತು

ಶ್ರೀ ಕೆ. ಎ. ತಿಪ್ಪೇಸ್ವಾಮಿ(ನಾಮನಿರ್ದೇಶನ ಹೊಂದಿದವರು):-

1377 (1625) ಮಾನ್ಯ ಕೈಮಗ್ಗ ಮತ್ತು ಜವಳಿ ಹಾಗೂ ಅಲ್ಪಸಂಖ್ಯಾತರ ಕಲ್ಯಾಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯದಲ್ಲಿ ಕಳೆದ ಮೂರು ವರ್ಷಗಳಲ್ಲಿ ಅಲ್ಪಸಂಖ್ಯಾತರ ಉನ್ನತಿಗಾಗಿ ಹಾಗೂ ಅವರ ಜೀವನ ಮಟ್ಟವನ್ನು ಸುಧಾರಿಸಲು ಕೇಂದ್ರ ಮತ್ತು ರಾಜ್ಯ ಸರ್ಕಾರಗಳು ಕೈಗೊಂಡ ಯೋಜನೆಯ ವಿವರಗಳೇನು ; (ಪೂರ್ಣ ವಿವರ ನೀಡುವುದು)

(ಆ) ಮೇಲ್ಕಂಡ ಅವಧಿಯಲ್ಲಿ ಅಲ್ಪಸಂಖ್ಯಾತ ವಿದ್ಯಾರ್ಥಿಗಳಿಗೆ ವಿದ್ಯಾರ್ಥಿ ವೇತನವನ್ನು ನೀಡಲಾಗಿದೆಯೇ ; ನೀಡಿದ್ದಲ್ಲಿ, ಪೂರ್ಣ ಮಾಹಿತಿ ನೀಡುವುದು ;

(ಇ) ವಿವಿಧ ಯೋಜನೆಗಳ ಅಡಿಯಲ್ಲಿ ಎಷ್ಟು ಅಲ್ಪಸಂಖ್ಯಾತರಿಗೆ ಅನುದಾನವನ್ನು ಹಂಚಿಕೆ ಮಾಡಲಾಗಿದೆ ಮತ್ತು ಈ ಯೋಜನೆಗಳ ಅನುಷ್ಠಾನದಿಂದ ಎಷ್ಟು ಫಲಾನುಭವಿಗಳಿಗೆ ಅನುಕೂಲವಾಗಿದೆ; (ಜಿಲ್ಲಾವಾರು ಮಾಹಿತಿ ನೀಡುವುದು)

(ಈ) ಪ್ರಸ್ತುತ ಆರ್ಥಿಕ ವರ್ಷದಲ್ಲಿ ಅಲ್ಪಸಂಖ್ಯಾತರಿಗೆ ಅವರ ಜನಸಂಖ್ಯೆ ಆಧಾರದ ಮೇಲೆ ಅನುದಾನವನ್ನು ಹೆಚ್ಚಿಸುವ ಪ್ರಸ್ತಾವನೆ ಸರ್ಕಾರದ ಮುಂದಿದೆಯೇ ; ಹಾಗಿದ್ದಲ್ಲಿ, ಎಷ್ಟರಮಟ್ಟಿಗೆ ಹೆಚ್ಚಿಸುವ ಸಾಧ್ಯತೆಯಿದೆ ; (ವಿವರ ನೀಡುವುದು)

(ಉ) ರಾಜ್ಯದಲ್ಲಿ ಕಳೆದ ಮೂರು ವರ್ಷಗಳಿಂದ ಕೇಂದ್ರ ಮತ್ತು ರಾಜ್ಯ ಸರ್ಕಾರಗಳು ಜಾರಿಗೆ ತಂದಿರುವ ಪ್ರಮುಖ ಯೋಜನೆಗಳ ಧನ ಸಹಾಯದಿಂದ ಅಲ್ಪಸಂಖ್ಯಾತರ ಸಮುದಾಯಗಳ ಜೀವನ ಮಟ್ಟದಲ್ಲಿ ತರಲಾದ ಸುಧಾರಣೆಯ ತುಲನಾತ್ಮಕ ಅಧ್ಯಯನವನ್ನು ಕೇಂದ್ರ ಅಥವಾ ರಾಜ್ಯ ಸರ್ಕಾರವಾಗಲಿ ನಡೆಸಿದೆಯೇ ? (ಪೂರ್ಣ ವಿವರ ನೀಡುವುದು)